ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೊಂದನೆಯ ಅಧಿವೇಶನ

ಶುಕ್ರವಾರ, ದಿನಾಂಕ: 25ನೇ ಸೆಪ್ಟಂಬರ್, 2020

ಕರ್ನಾಟಕ ಗ್ರಾಮೀಣ ಕುಡಿಯುವ ನೀರು ಮತ್ತು ನೈರ್ಮಲ್ಯ ಯೋಜನೆಗಳ ಬಗ್ಗೆ

ಶ್ರೀ ಎಂ.ಎ. ಗೋಪಾಲಸ್ವಾಮಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

621 (727) ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಕರ್ನಾಟಕ ಗ್ರಾಮೀಣ ಕುಡಿಯುವ ನೀರು ಮತ್ತು ನೈರ್ಮಲ್ಯ ಯೋಜನೆಯ ಅನುದಾನದಡಿ ಗ್ರಾಮೀಣ ಭಾಗದಲ್ಲಿ ಕೈಗೊಳ್ಳುತ್ತಿರುವ ಕಾಮಗಾರಿಗಳು ಯಾವುವು; ಈ ಕಾಮಗಾರಿಗಳನ್ನು ಯಾವ ಇಲಾಖೆಯ ಮೂಲಕ ಕಾರ್ಯಗತಗೊಳಿಸಲಾಗುವುದು; (ಸಂಪೂರ್ಣ ವಿವರ ನೀಡುವುದು)

(ಆ) ಕಳೆದ ಮೂರು ವರ್ಷಗಳಲ್ಲಿ ಹಾಸನ ಜಿಲ್ಲೆಯಲ್ಲಿ ಕೈಗೊಂಡಿರುವ ಕಾಮಗಾರಿಗಳು ಯಾವುವು; ಈ ಕಾಮಗಾರಿಗಳಿಗೆ ಮಂಜೂರಾದ ಅನುದಾನವೆಷ್ಟು; ಖರ್ಚಾದ ಅನುದಾನವೆಷ್ಟು ; ಈ ಕಾಮಗಾರಿಗಳು ಯಾವ ಹಂತದಲ್ಲಿವೆ; (ಗುತ್ತಿಗೆದಾರರ ವಿವರಗಳೊಂದಿಗೆ ಮಾಹಿತಿ ನೀಡುವುದು)

(ಇ) ಕರ್ನಾಟಕ ಗ್ರಾಮೀಣ ಕುಡಿಯುವ ನೀರು ಮತ್ತು ನೈರ್ಮಲ್ಯ ಯೋಜನೆಯಡಿ ಹಾಸನ ಜಿಲ್ಲೆಯಲ್ಲಿ ನಿರ್ವಹಿಸಲಾಗುತ್ತಿರುವ ಕಾಮಗಾರಿಗಳು ಬಹಳ ವಿಳಂಬವಾಗುತ್ತಿರುವುದರಿಂದ ಸಾರ್ವಜನಿಕರಿಗೆ ಬಹಳ ತೊಂದರೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ನೆನೆಗುದಿಗೆ ಬಿದ್ದಿರುವ ಕಾಮಗಾರಿಗಳು ಯಾವುವು; ಈ ಕಾಮಗಾರಿಗಳನ್ನು ಯಾವ ಕಾಲಮಿತಿಯೊಳಗೆ ಪೂರ್ಣಗೊಳಿಸಲಾಗುವುದು ? (ಸಂಪೂರ್ಣ ವಿವರ ನೀಡುವುದು)